# ಕರ್ನಾಟಕ ವಿಧಾನಸಭೆ

ಹದಿನಾಲ್ಕನೇ ವಿಧಾನಸಭೆ
(ಮೊದಲನೇ ಅಧಿವೇಶನ)
(ಮುಂದುವರೆದ ಉಪವೇಶನ)

## ಕಾರ್ಯಕಲಾಪಗಳ ಪಟ್ಟಿ

ಶುಕ್ರವಾರ, ದಿನಾಂಕ 26ನೇ ಜುಲೈ, 2013
(ಸಮಯ: ಬೆಳಗ್ಗೆ 10.00 ಗಂಟೆಗೆ)

-----

### 1. ವಿತ್ತೀಯ ಕಾರ್ಯಕಲಾಪಗಳು

2013-14ನೇ ಸಾಲಿನ ಪರಿಷ್ಕೃತ ಆಯವ್ಯಯ ಅಂದಾಜುಗಳ ಮೇಲೆ ಮುಂದುವರೆದ ಸಾಮಾನ್ಯ ಚರ್ಚೆ ಹಾಗೂ ಬೇಡಿಕೆಗಳ ಮೇಲಿನ ಚರ್ಚೆ.

| ಬೇಡಿಕೆ ಸಂಖ್ಯೆ | ಬೇಡಿಕೆಗಳ ಹೆಸರು |
|---|---|
| 03 | ಆರ್ಥಿಕ |
| 04 | ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ |
| 18 | ವಾಣಿಜ್ಯ ಮತ್ತು ಕೈಗಾರಿಕೆ |
| 24 | ಇಂಧನ |
| 12 | ವಾರ್ತಾ, ಪ್ರವಾಸೋದ್ಯಮ ಮತ್ತು ಯುವಜನಸೇವೆಗಳು |
| 17 | ಶಿಕ್ಷಣ |
| 02 | ಪಶುಸಂಗೋಪನೆ ಮತ್ತು ಮೀನುಗಾರಿಕೆ |
| 27 | ಕಾನೂನು |
| 28 | ಸಂಸದೀಯ ವ್ಯವಹಾರಗಳು ಮತ್ತು ಶಾಸನ ರಚನೆ |
| 08 | ಅರಣ್ಯ, ಜೀವಿಶಾಸ್ತ್ರ ಮತ್ತು ಪರಿಸರ |
| 07 | ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ |
| 14 | ಕಂದಾಯ |
| 20 | ಲೋಕೋಪಯೋಗಿ |
| 05 | ಒಳಾಡಳಿತ ಮತ್ತು ಸಾರಿಗೆ |
| 09 | ಸಹಕಾರ |
| 16 | ವಸತಿ |
| 19 | ನಗರಾಭಿವೃದ್ಧಿ |
| 21 | ಜಲಸಂಪನ್ಮೂಲ |
| 22 | ಆರೋಗ್ಯ ಮತ್ತು ಕುಟುಂಬ ಕಲ್ಯಾಣ |

ಮು.ತಿ.ನೋ.,

| | |
|---|---|
| 10 | ಸಮಾಜ ಕಲ್ಯಾಣ |
| 15 | ಮಾಹಿತಿ ತಂತ್ರಜ್ಞಾನ |
| 26 | ಯೋಜನೆ, ಸಾಂಖ್ಯಿಕ, ವಿಜ್ಞಾನ ಮತ್ತು ತಂತ್ರಜ್ಞಾನ |
| 13 | ಆಹಾರ ಮತ್ತು ನಾಗರೀಕ ಸರಬರಾಜು |
| 01 | ಕೃಷಿ ಮತ್ತು ತೋಟಗಾರಿಕೆ |
| 06 | ಮೂಲಭೂತ ಸೌಕರ್ಯ ಅಭಿವೃದ್ಧಿ |
| 11 | ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ |
| 25 | ಕನ್ನಡ ಮತ್ತು ಸಂಸ್ಕೃತಿ |
| 23 | ಕಾರ್ಮಿಕ |

## 2. ಶಾಸನ ರಚನೆ

**ವಿಧೇಯಕಗಳನ್ನು ಪರ್ಯಾಲೋಚಿಸುವುದು ಹಾಗೂ ಅಂಗೀಕರಿಸುವುದು**

**1) ಕರ್ನಾಟಕ ಪೌರನಿಗಮಗಳ (ತಿದ್ದುಪಡಿ) ವಿಧೇಯಕ, 2013**
**ಶ್ರೀ ಸಿದ್ಧರಾಮಯ್ಯ ( ಮುಖ್ಯಮಂತ್ರಿಯವರು) ಅವರು:-**

ಅ) 2013ನೇ ಸಾಲಿನ ಕರ್ನಾಟಕ ಪೌರನಿಗಮಗಳ (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;
ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

**2) ಕರ್ನಾಟಕ ಪೌರನಿಗಮಗಳ (ತಿದ್ದುಪಡಿ) ವಿಧೇಯಕ, 2013**
**ಶ್ರೀ ವಿನಯಕುಮಾರ್ ಸೊರಕೆ ( ನಗರಾಭಿವೃದ್ಧಿ ಸಚಿವರು) ಅವರು:-**

ಅ) 2013ನೇ ಸಾಲಿನ ಕರ್ನಾಟಕ ಪೌರನಿಗಮಗಳ (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;
ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

## 3. ಪ್ರಶ್ನೋತ್ತರ

| | | |
|---|---|---|
| **ಅ) ಸದನದಲ್ಲಿ ಉತ್ತರಿಸುವ ಪ್ರಶ್ನೆಗಳು** | : | **ಹನ್ನೊಂದನೇ ಪಟ್ಟಿ** |
| **ಆ) ದಿನಾಂಕ: 17ನೇ ಜುಲೈ, 2013ರ ನಾಲ್ಕನೇ ಪಟ್ಟಿಯಿಂದ ತಡೆಹಿಡಿಯಲಾದ ಡಾ॥ ಶಿವರಾಜ್ ಪಾಟೀಲ್ ಎಸ್. ಅವರ ಚುಕ್ಕೆ ಗುರುತಿನ ಪ್ರಶ್ನೆ ಸಂಖ್ಯೆ:೫೦(292)** | : | **ಪೌರಾಡಳಿತ,ಸ್ಥಳೀಯ ಸಂಸ್ಥೆಗಳು, ಸಾರ್ವಜನಿಕ ಉದ್ದಿಮೆಗಳ ಹಾಗೂ ಅಲ್ಪಸಂಖ್ಯಾತರ ಕಲ್ಯಾಣ, ಹಜ್ ಮತ್ತು ವಕ್ಫ್ ಸಚಿವರು** |
| **ಇ) ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆಗಳು** | : | **ಹನ್ನೊಂದನೇ ಪಟ್ಟಿ** |

**ಮು.ತಿ.ನೋ.,**

## 4. ಗಮನ ಸೆಳೆಯುವ ಸೂಚನೆಗಳು

1. ಶ್ರೀ ಕೆ.ಎಸ್. ಪುಟ್ಟಣ್ಣಯ್ಯ ಅವರು ಕೃಷಿ ಪ್ರದೇಶದಲ್ಲಿ ಕೆಲಸ ಮಾಡುವ ಮಹಿಳೆಯರು ಹೆಚ್ಚಾಗಿ ಗರ್ಭಕೋಶದ ಕಾಯಿಲೆಗೆ ತುತ್ತಾಗುತ್ತಿರುವುದರಿಂದ ಅವರಿಗೆ ಉಚಿತ ಚಿಕಿತ್ಸೆಯನ್ನು ನೀಡುವ ಬಗ್ಗೆ ಮಾನ್ಯ ಆರೋಗ್ಯ ಕುಟುಂಬ ಕಲ್ಯಾಣ ಸಚಿವರ ಗಮನ ಸೆಳೆಯುವುದು.

2. ಶ್ರೀ. ಕೆ. ವಸಂತ ಬಂಗೇರ ಅವರು ಉಜಿರೆ ಎಸ್.ಡಿ.ಎಂ ಕಾಲೇಜಿನ ವಿದ್ಯಾರ್ಥಿನಿ ಅಪರಿಚಿತರರಿಂದ ಅತ್ಯಾಚಾರಕ್ಕೊಳಗಾಗಿ ಕೊಲೆಯಾದ ಬಗ್ಗೆ ಮಾನ್ಯ ಗೃಹ ಸಚಿವರ ಗಮನ ಸೆಳೆಯುವುದು.

3. ಶ್ರೀ ಹೆಚ್.ಸಿ. ಬಾಲಕೃಷ್ಣ ಅವರು 2009-10ನೇ ಸಾಲಿನಲ್ಲಿ ಮಾಗಡಿ ತಾಲ್ಲೂಕು ಅಜ್ಜನಹಳ್ಳಿ ಗ್ರಾಮಪಂಚಾಯಿತಿಯಲ್ಲಿ ಉದ್ಯೋಗ ಖಾತ್ರಿ ಯೋಜನೆಯಡಿ ಕಾಮಗಾರಿಗಳು ಪೂರ್ಣಗೊಂಡಿದ್ದರು ಬಾಕಿ ಹಣ ಪಾವತಿ ಮಾಡದಿರುವ ಬಗ್ಗೆ ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರ ಗಮನ ಸೆಳೆಯುವುದು.

4. ಶ್ರೀ ಕೆ.ಎಂ. ಶಿವಲಿಂಗೇಗೌಡ ಅವರು ರಾಜ್ಯದಲ್ಲಿ ಕಡ್ಡಾಯ ಶಿಕ್ಷಣ ಕಾಯ್ದೆಯಡಿ ಖಾಸಗಿ ಶಾಲೆಗಳಲ್ಲಿ ಬಡ ವಿದ್ಯಾರ್ಥಿಗಳಿಗೆ ಪ್ರವೇಶ ನೀಡದಿರುವುದರಿಂದ ಉಂಟಾಗುತ್ತಿರುವ ತೊಂದರೆಯ ಬಗ್ಗೆ ಮಾನ್ಯ ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಸಚಿವರ ಗಮನ ಸೆಳೆಯುವುದು.

5. ಶ್ರೀ ವಿ. ಸುನೀಲ್ ಕುಮಾರ್ ಅವರು ಉಡುಪಿ ಜಿಲ್ಲೆಯ ಕೆಲವು ಗ್ರಾಮಗಳು ನಕ್ಸಲ್ ಪೀಡಿತವಾಗಿದ್ದು ಈ ಗ್ರಾಮಗಳ ಮೂಲಭೂತ ಸಮಸ್ಯೆಗಳ ನಿವಾರಣೆ ಬಗ್ಗೆ ಗೃಹ ಸಚಿವರ ಗಮನ ಸೆಳೆಯುವುದು.

6. ಶ್ರೀ ಎಸ್. ಮಧು ಬಂಗಾರಪ್ಪ ಅವರು ಬ್ರಹ್ಮಶ್ರೀ ನಾರಾಯಣ ಗುರುಗಳ ಜಯಂತಿಯನ್ನು ಸರ್ಕಾರದಿಂದ ಆಚರಿಸುವ ಮತ್ತು ಶಾಲಾ ಪಠ್ಯ ಪುಸ್ತಕಗಳಲ್ಲಿ ಸೇರಿಸುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

7. ಶ್ರೀ ಪಿ.ಆರ್. ಸುಧಾಕರ್ ಲಾಲ್ ಅವರು ರಾಜ್ಯದಲ್ಲಿ ಸರ್ವ ಶಿಕ್ಷಣ ಅಭಿಯಾನದಡಿಯಲ್ಲಿ ಸಮನ್ವಯ ಶಿಕ್ಷಣ ಸಂಪನ್ಮೂಲ ಶಿಕ್ಷಕರಗಳನ್ನು ಕೆಲವು ಜಿಲ್ಲೆಗಳಲ್ಲಿ ನೇಮಿಸಿಕೊಳ್ಳದಿರುವುದರಿಂದ ಅಂಗವಿಕಲ ಮಕ್ಕಳಿಗೆ ತೊಂದರೆಯಾಗುತ್ತಿರುವ ಬಗ್ಗೆ ಮಾನ್ಯ ಪ್ರಾಥಮಿಕ ಮತ್ತು ಪ್ರೌಢಶಿಕ್ಷಣ ಸಚಿವರ ಗಮನ ಸೆಳೆಯುವುದು.

8. ಶ್ರೀ ಹೆಚ್.ಡಿ.ರೇವಣ್ಣ ಅವರು ಹಾಸನ ನಗರದ ಬಸ್ ನಿಲ್ದಾಣ ಹತ್ತಿರ ಚನ್ನಪಟ್ಟಣದ ಕೆರೆ ಅಂಗಳದಲ್ಲಿ ರೈಲ್ವೆ ನಿಲ್ದಾಣಕ್ಕಾಗಿ ಜಮೀನು ಮಂಜೂರುವಾಗಿದ್ದರು ಹಣ ಪಾವತಿಸದೇ ಕಾಮಗಾರಿ ಪ್ರಕ್ರಿಯೆ ಪ್ರಾರಂಭ ಮಾಡದಿರುವ ಬಗ್ಗೆ ಮಾನ್ಯ ಮೂಲಭೂತ ಸೌಲಭ್ಯ ಅಭಿವೃದ್ಧಿ ಮತ್ತು ವಾರ್ತಾ ಸಚಿವರ ಗಮನ ಸೆಳೆಯುವುದು.

9. ಶ್ರೀ ಬಿ.ಬಿ. ನಿಂಗಯ್ಯ ಅವರು ಚಿಕ್ಕಮಗಳೂರು ಜಿಲ್ಲೆ ಮೂಡಗೆರೆ ತಾಲ್ಲೂಕು ಕಳಸ ಹೋಬಳಿಯ ಶ್ರೀ ಕಲಕೇಶ್ವರ ಸ್ವಾಮಿ ದೇವಾಲಕ್ಕೆ ಉಂಬಳಿ ಬಿಟ್ಟಿದ್ದ ಭೂಮಿಯನ್ನು ಅರಣ್ಯ ಇಲಾಖೆಗೆ ಹಸ್ತಾಂತರಿಸಬೇಕೆಂದು ಉಚ್ಚನ್ಯಾಯಲಯವು ತೀರ್ಪು ನೀಡಿರುವುದರಿಂದ ಬಡ ಕೃಷಿ ಕಾರ್ಮಿಕರಿಗೆ ತೊಂದರೆಯಾಗಿರುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯವುದು.

ಪು.ತಿ.ನೋ.,

10. ಶ್ರೀ ಜಿ.ಹೆಚ್. ಶ್ರೀನಿವಾಸ ಅವರು ರಾಜ್ಯದಲ್ಲಿನ ತಾಲ್ಲೂಕು ಪಂಚಾಯಿತಿಗಳಲ್ಲಿ ಪ್ರಭಾರ ಕಾರ್ಯನಿರ್ವಹಣಾಧಿಕಾರಿಗಳನ್ನು ಮಾತ್ರ ಇಲಾಖೆ ವಾಪಸ್ಸು ಕಳುಹಿಸಿ ಅನುಭವಿ ಅಧಿಕಾರಿಗಳನ್ನು ನೇಮಕ ಮಾಡುವ ಬಗ್ಗೆ ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರ ಗಮನ ಸೆಳೆಯುವುದು.

**5. ನಿಯಮ 69ರ ಮೇರೆಗೆ ಸಾರ್ವಜನಿಕ ಮಹತ್ವದ ಜರೂರು ವಿಷಯದ ಬಗ್ಗೆ ಅಲ್ಪ ಕಾಲಾವಧಿ ಚರ್ಚೆ**

ಶ್ರೀಯುತರುಗಳಾದ ಹೆಚ್.ಡಿ.ಕುಮಾರ್‌ಸ್ವಾಮಿ, ಹೆಚ್.ಡಿ.ರೇವಣ್ಣ, ಬಿ.ನಾಗರಾಜಯ್ಯ, ಎಂ.ಟಿ. ಕೃಷ್ಣಪ್ಪ, ಕೆ.ಎಂ.ಶಿವಲಿಂಗೇಗೌಡ ಹಾಗೂ ಇತರರು ರಾಜ್ಯದಲ್ಲಿ ಆಲೂಗಡ್ಡೆ ಬೆಳೆಯುವ ಪ್ರದೇಶಗಳಲ್ಲಿ ಕಳೆದ ಮೂರು ವರ್ಷಗಳಿಂದ ಸತತವಾಗಿ ಬೆಳೆಯು ಅಂಗಮಾರಿ ರೋಗಕ್ಕೆ ತುತ್ತಾಗಿರುವುದರಿಂದ ರೈತರು ತೊಂದರೆ ಅನುಭವಿಸುತ್ತಿರುವ ಬಗ್ಗೆ ಚರ್ಚೆ.

**ಪಿ.ಓಂಪ್ರಕಾಶ**
ಕಾರ್ಯದರ್ಶಿ

*Raj N*

**ವಿಧಾನಸಭೆಯ ಕಾರ್ಯಕಲಾಪಗಳ ಪಟ್ಟಿಯನ್ನು ವೆಬ್‌ಸೈಟ್‌ನಲ್ಲಿಯೂ ಸಹ ಪಡೆದುಕೊಳ್ಳಬಹುದು.**
(www.kar.nic.in/kla)